# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಹದಿನೈದನೇ ಅಧಿವೇಶನ

# ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 21ನೇ ಫೆಬ್ರವರಿ, 2023
(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

## 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಆರನೇ ಪಟ್ಟಿ

ಆ) **ವರ್ಗಾವಣೆಗೊಂಡ ಪ್ರಶ್ನೆ:-**

ದಿನಾಂಕ: 16.02.2023ರ 4ನೇ ಪಟ್ಟಿಯಿಂದ ವರ್ಗಾವಣೆಗೊಂಡ ಶ್ರೀ ಎ. ಮಂಜುನಾಥ್ ಇವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 54(447) : ಮಾನ್ಯ ಜಲ ಸಂಪನ್ಮೂಲ ಸಚಿವರು

ಇ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಆರನೇ ಪಟ್ಟಿ

## 2. ವರದಿಗಳನ್ನೊಪ್ಪಿಸುವುದು

**ಶ್ರೀ ಕೃಷ್ಣ ಬೈರೇಗೌಡ** (ಅಧ್ಯಕ್ಷರು, ಸಾರ್ವಜನಿಕ ಲೆಕ್ಕಪತ್ರಗಳ ಸಮಿತಿ) ಅವರು ಕರ್ನಾಟಕ ವಿಧಾನಮಂಡಲದ ಸಾರ್ವಜನಿಕ ಲೆಕ್ಕಪತ್ರಗಳ ಸಮಿತಿಯ 2022-23ನೇ ಸಾಲಿನ ಹತ್ತನೇ ಮತ್ತು ಹನ್ನೊಂದನೇ ವರದಿಗಳನ್ನೊಪ್ಪಿಸುವುದು.

## 3. ವಿತ್ತೀಯ ಕಾರ್ಯಕಲಾಪಗಳು

ಅ) **ಶ್ರೀ ಬಸವರಾಜ ಬೊಮ್ಮಾಯಿ (ಮುಖ್ಯಮಂತ್ರಿಗಳು) ಅವರು:-** 2022-23ನೇ ಸಾಲಿನ ಪೂರಕ ಅಂದಾಜುಗಳ (ಮೂರನೇ ಹಾಗೂ ಅಂತಿಮ ಕಂತು) ಬೇಡಿಕೆಗಳನ್ನು ಮಂಡಿಸುವುದು.

ಆ) 2023-24ನೇ ಸಾಲಿನ ಆಯವ್ಯಯ ಅಂದಾಜುಗಳ ಮೇಲೆ ಸಾಮಾನ್ಯ ಚರ್ಚೆ (ಎರಡನೇ ದಿನ)

ಇ) 2022-23ನೇ ಸಾಲಿನ ಪೂರಕ ಅಂದಾಜುಗಳ (ಮೂರನೇ ಹಾಗೂ ಅಂತಿಮ ಕಂತು) ಮೇಲೆ ಚರ್ಚೆ

..2/

## 4. ಶಾಸನ ರಚನೆ

### ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

1. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಜಿ.ಎಂ. ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.
2. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಕಿಷ್ಕಿಂದ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.
3. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಆಚಾರ್ಯ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.
4. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಸಪ್ತಗಿರಿ ಎನ್ ಪಿ ಎಸ್ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.
5. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ರಾಜ್ಯ ಒಕ್ಕಲಿಗರ ಸಂಘ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.
6. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**
   - ಅ) 2022ನೇ ಸಾಲಿನ ಟಿ. ಜಾನ್ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
   - ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

..3/

**7.** **ಶ್ರೀ ವಿ. ಸುನಿಲ್ ಕುಮಾರ್ (ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು) ಅವರು:-**

ಅ) 2022ನೇ ಸಾಲಿನ ಕನ್ನಡ ಭಾಷಾ ಸಮಗ್ರ ಅಭಿವೃದ್ಧಿ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 6. ಗಮನ ಸೆಳೆಯುವ ಸೂಚನೆಗಳು

1) **ಡಾ. ಹೆಚ್.ಡಿ. ರಂಗನಾಥ್ ಅವರು** – ಕುಣಿಗಲ್ ತಾಲ್ಲೂಕಿನಾದ್ಯಂತ ಅಸಮರ್ಪಕ ವಿದ್ಯುತ್ ಸರಬರಾಜಿನಿಂದ ರೈತರಿಗೆ ಹಾಗೂ ವಿದ್ಯಾರ್ಥಿಗಳಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

2) **ಶ್ರೀ ಡಿ.ಕೆ. ಶಿವಕುಮಾರ್ ಅವರು** – ಬೆಂಗಳೂರು ಅಭಿವೃದ್ಧಿ ಪ್ರಾಧಿಕಾರವು ಶಿವರಾಮ ಕಾರಂತ ಬಡಾವಣೆಯನ್ನು ನಿರ್ಮಿಸಲು ಸ್ವಾಧೀನಪಡಿಸಿಕೊಂಡ ಭೂಮಿ, ಬಡಾವಣೆ ನಿರ್ಮಿಸಿರುವ ವಿಸ್ತೀರ್ಣ, ಬಾಕಿ ಉಳಿದಿರುವ ವಿಸ್ತೀರ್ಣ, ಭೂ ಸ್ವಾಧೀನಪಡಿಸಿಕೊಂಡ ರೈತರಿಗೆ ಪ್ರತಿ ಎಕರೆಗೆ ನೀಡಿರುವ ಪರಿಹಾರ ಮೊತ್ತ, ಕಾಮಗಾರಿಯನ್ನು ನಿರ್ವಹಿಸಲು ಗುತ್ತಿಗೆಯನ್ನು ನೀಡಿರುವ ಕಂಪನಿ/ಏಜೆನ್ಸಿ, ಗುತ್ತಿಗೆಯನ್ನು ನೀಡುವಾಗ ಅನುಸರಿಸಿರುವ ಮಾನದಂಡ, ಬಡಾವಣೆಯ ನಿರ್ಮಾಣದ ಹಂತ ಇವುಗಳ ವಿವರ ಹಾಗೂ ಟೆಂಡರ್ ಪ್ರಕ್ರಿಯೆಯಲ್ಲಿ ನಡೆದಿರುವ ಅವ್ಯವಹಾರ ಕುರಿತು ಕ್ರಮ ಕೈಗೊಳ್ಳದಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

3) **ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಕೆ.ಎಸ್. ಲಿಂಗೇಶ್, ಸುರೇಶ್ ಗೌಡ ಹಾಗೂ ಇತರರು** – ಹಾಸನ ನಗರ ಸಭೆಗೆ ವಿವಿಧ ಗ್ರಾಮಗಳನ್ನು ಸೇರ್ಪಡೆ ಮಾಡಿ ಆದೇಶವಾಗಿದ್ದರೂ ಕೆಲವು ಗ್ರಾಮ ಪಂಚಾಯತಿಗಳಲ್ಲಿ ನಿಯಮಬಾಹಿರವಾಗಿ ಕೋಟ್ಯಾಂತರ ರೂಪಾಯಿ ಬೆಲೆ ಬಾಳುವ ಸಿ.ಎ. ನಿವೇಶನಗಳನ್ನು ವಿವಿಧ ಸಂಘಗಳಿಗೆ ನೀಡಿರುವ ಕುರಿತು ಸಮಗ್ರವಾಗಿ ತನಿಖೆ ಮಾಡಿ ತಪ್ಪಿತಸ್ಥ ಅಧಿಕಾರಿಗಳ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

4) **ಶ್ರೀ ಎನ್. ಮಹೇಶ್ ಅವರು** – ಕೊಳ್ಳೇಗಾಲ ವಿಧಾನಸಭಾ ಕ್ಷೇತ್ರದ ಯಳಂದೂರು ಸರ್ಕಾರಿ ಆಸ್ಪತ್ರೆಯನ್ನು 100 ಹಾಸಿಗೆಗಳ ಆಸ್ಪತ್ರೆಯಾಗಿ ಮೇಲ್ದರ್ಜೆಗೇರಿಸಿ ನೂತನ ಕಟ್ಟಡ ನಿರ್ಮಿಸಿ ಅಗತ್ಯವಿರುವ ವೈದ್ಯಕೀಯ ಸಲಕರಣೆಗಳು ಹಾಗೂ ಪೀಠೋಪಕರಣಗಳ ಖರೀದಿಗೆ ಅಗತ್ಯ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

5) **ಶ್ರೀ ಎಂ. ಕೃಷ್ಣಾರೆಡ್ಡಿ ಅವರು** – ಚಿಂತಾಮಣಿಯಲ್ಲಿರುವ ಸರ್ಕಾರಿ ಬಾಲಕರ ಪ್ರಥಮ ದರ್ಜೆ ಕಾಲೇಜು ಮತ್ತು ಸ್ನಾತಕೋತ್ತರ ಕೇಂದ್ರದಲ್ಲಿ ವ್ಯಾಸಂಗ ಮಾಡುತ್ತಿರುವ ವಿದ್ಯಾರ್ಥಿಗಳಿಗೆ ವಿದ್ಯಾರ್ಥಿ ವೇತನವನ್ನು ನೀಡದಿರುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

6) **ಶ್ರೀ ಸಿ.ಎಸ್. ನಿರಂಜನ ಕುಮಾರ್ ಅವರು** – ರಾಜ್ಯದಲ್ಲಿ ಬೆಳೆಯುವ ಅರಿಶಿಣ ಬೆಳೆಗೆ ಪ್ರತಿ ಕ್ವಿಂಟಾಲ್‌ಗೆ ರೂ.17,500/–ಗಳನ್ನು ಬೆಂಬಲ ಬೆಲೆಯಾಗಿ ಘೋಷಣೆ ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

7) **ಶ್ರೀ ರವೀಂದ್ರ ಶ್ರೀಕಂಠಯ್ಯ ಅವರು** – ಶ್ರೀರಂಗಪಟ್ಟಣ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಆಶ್ರಯ ಮತ್ತು ರಾಜೀವ್ ಗಾಂಧಿ ವಸತಿ ಯೋಜನೆಯಡಿಯಲ್ಲಿ ಮನೆಗಳ ನಿರ್ಮಾಣಕ್ಕಾಗಿ ನಿಗದಿಪಡಿಸಿರುವ ಮೊತ್ತವನ್ನು ಪುನರ್ ವಿಮರ್ಶಿಸಿ ಹೆಚ್ಚಿನ ಅನುದಾನವನ್ನು ನೀಡುವ ಬಗ್ಗೆ ಮಾನ್ಯ ವಸತಿ ಹಾಗೂ ಮೂಲಸೌಲಭ್ಯ ಅಭಿವೃದ್ಧಿ ಸಚಿವರ ಗಮನ ಸೆಳೆಯುವುದು.

8) **ಡಾ. ಕೆ. ಅನ್ನದಾನಿ ಅವರು** – ಮಳವಳ್ಳಿ ತಾಲ್ಲೂಕಿನ ಹಲಗೂರು ನೀರಾವರಿ ಯೋಜನೆಯನ್ನು ರೂಪಿಸಲು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

9) **ಶ್ರೀ ಕೆ. ಮಹದೇವ ಅವರು** – ಪಿರಿಯಾಪಟ್ಟಣ ಮತಕ್ಷೇತ್ರಕ್ಕೆ ತಾಯಿ ಮತ್ತು ಮಕ್ಕಳ ಆಸ್ಪತ್ರೆಯನ್ನು ಮಂಜೂರು ಮಾಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

10) **ಶ್ರೀ ಅರುಣ್ ಕುಮಾರ್ ಗುತ್ತೂರು ಅವರು** – ಕರ್ನಾಟಕ ರಾಜ್ಯ ಮದ್ಯಪಾನ ಸಂಯಮ ಮಂಡಳಿಯಲ್ಲಿ ರಾಜ್ಯ ಹೆದ್ದಾರಿ ಫಲಕಗಳ ಜಾಹೀರಾತಿಗೆ ಬಿಡುಗಡೆಯಾದ ಅನುದಾನ, ಪ್ರತಿ ವರ್ಷ ಫಲಕಗಳನ್ನು ಹಾಕುತ್ತಿರುವ ಸಂಸ್ಥೆಗಳು, ಹೆದ್ದಾರಿಗಳಲ್ಲಿ ಫಲಕಗಳನ್ನು ಹಾಕಿದ ಸ್ಥಳದ ಪರಿಶೀಲನೆ ಮಾಡಿ ಸಲ್ಲಿಸಿರುವ ವರದಿಯ ಮಾಹಿತಿ ಮತ್ತು ಪ್ರತಿ ಮೂರು ತಿಂಗಳಿಗೆ ಫಲಕಗಳನ್ನು ಹಾಕಲಾಗಿದೆ ಎಂದು ತಪ್ಪು ಮಾಹಿತಿ ನೀಡಿರುವ ಬಗ್ಗೆ ಹಾಗೂ ಮಂಡಳಿಯ ವಾಗನರ್ ಕಾರನ್ನು ಕಾನೂನು ಬಾಹಿರವಾಗಿ ವಿಲೇವಾರಿ ಮಾಡಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

11) **ಶ್ರೀ ಸಿ.ಎನ್. ಬಾಲಕೃಷ್ಣ ಅವರು** – ಶ್ರವಣಬೆಳಗೊಳ ಮತಕ್ಷೇತ್ರದ ಪ್ರಗತಿ ಕಾಲೋನಿಗಳಲ್ಲಿ ಮೂಲಭೂತ ಸೌಲಭ್ಯಗಳನ್ನು ಕಲ್ಪಿಸುವ ಕಾಮಗಾರಿಗಳು ಮುಕ್ತಾಯಗೊಂಡರೂ ಅನುದಾನ ಬಿಡುಗಡೆಯಾಗದಿರುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

12) **ಶ್ರೀ ಕೆ.ಎಸ್. ಲಿಂಗೇಶ್ ಅವರು** – ಬೇಲೂರು ವಿಧಾನಸಭಾ ಕ್ಷೇತ್ರದ ಅರಸೀಕೆರೆ ತಾಲ್ಲೂಕಿನ ಜಾವಗಲ್ ಹೋಬಳಿಯಲ್ಲಿ ಕಳೆದ 60 ವರ್ಷಗಳಿಂದ ಉಳುಮೆ ಮಾಡಿ, ತೆಂಗು ಇತ್ಯಾದಿಗಳನ್ನು ಬೆಳೆದುಕೊಂಡು ಮನೆ ಕಟ್ಟಿಕೊಂಡು ವಾಸಿಸುತ್ತಿರುವವರನ್ನು ತೆರವುಗೊಳಿಸಲು ಅರಣ್ಯ ಇಲಾಖೆಯಿಂದ ಉದ್ಘೋಷಣೆ ಹೊರಡಿಸಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

13) **ಶ್ರೀ ಗೂಳಿಹಟ್ಟಿ ಡಿ. ಶೇಖರ್ ಅವರು** – ಸ್ಥಳೀಯ ಯೋಜನಾ ಪ್ರದೇಶದ ವ್ಯಾಪ್ತಿಯ ಹೊರಭಾಗದಲ್ಲಿ ಬರುವ ನಗರ ಸ್ಥಳೀಯ ಸಂಸ್ಥೆಗಳು ತೆರೆದಿರುವ ಖಾತೆಗಳನ್ನು ಇ–ಆಸ್ತಿ ತಂತ್ರಾಂಶದಲ್ಲಿ ಮುಂದುವರೆಸಲು ಹಾಗೂ ಗ್ರಾಮ ಪಂಚಾಯತಿಗಳನ್ನು ನಗರ ಸ್ಥಳೀಯ ಸಂಸ್ಥೆಗಳಾಗಿ ಮೇಲ್ದರ್ಜೆಗೇರಿಸಿದ ನಂತರ ಇ–ಆಸ್ತಿ ತಂತ್ರಾಂಶದಲ್ಲಿ ದಾಖಲಿಸಲು ನಿರ್ದೇಶನ ನೀಡುವ ಬಗ್ಗೆ ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ವಲಯ ಉದ್ಯಮಗಳ ಸಚಿವರ ಗಮನ ಸೆಳೆಯುವುದು.

14) **ಶ್ರೀ ಎಂ.ವೈ. ಪಾಟೀಲ ಅವರು** – ಅಫಜಲಪೂರ ತಾಲ್ಲೂಕಿನ ಬಂದರವಾಡ ಮತ್ತು ಹೂವಿನಹಳ್ಳಿ ಗ್ರಾಮಗಳಲ್ಲಿ ಎನ್.ಆರ್.ಡಿ.ಡಬ್ಲ್ಯೂ.ಪಿ. ಯೋಜನೆಯಡಿ ಪೂರ್ಣಗೊಳಿಸಿರುವ ಕಾಮಗಾರಿಗಳಿಗೆ ಬಾಕಿ ಇರುವ ಹಣವನ್ನು ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

15) **ಶ್ರೀ ದೊಡ್ಡಗೌಡರ ಮಹಾಂತೇಶ ಬಸವಂತರಾಯ ಅವರು** – ರಾಜ್ಯದಲ್ಲಿ ಪ್ರಾಥಮಿಕ ಶಿಕ್ಷಕರ ಕೊರತೆ ಇರುವುದರಿಂದ ನೇಮಕಾತಿ ಪ್ರಕ್ರಿಯೆಯನ್ನು ಕೂಡಲೇ ಕೈಗೊಳ್ಳುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

**ಎಂ.ಕೆ.ವಿಶಾಲಾಕ್ಷಿ**
**ಕಾರ್ಯದರ್ಶಿ**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು**
***http://kla.kar.nic.in/assembly/lob/lob.htm***